## ಕರ್ನಾಟಕ ವಿಧಾನ ಪರಿಷತ್

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 151
ಸದಸ್ಯರ ಹೆಸರು : ಶ್ರೀ ಹೆಚ್.ಎಂ. ರೇವಣ್ಣ (ವಿಧಾನಸಭೆಯಿಂದ ಚುನಾಯಿತರಾದವರು)
ಉತ್ತರಿಸುವ ದಿನಾಂಕ : 16-07-2019
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ. | ಪ್ರಶ್ನೆಗಳು | ಉತ್ತರಗಳು |
|---|---|---|
| ಅ | ಗ್ರಾಮ ಪಂಚಾಯತ್ ಸಿಬ್ಬಂದಿಗಳಿಗೆ ವೇತನವು ಸರಿಯಾದ ಸಮಯಕ್ಕೆ ಬಿಡುಗಡೆಯಾಗದಿರುವುದು ಸರಕಾರದ ಗಮನಕ್ಕೆ ಬಂದಿದೆಯೇ; | ಸರ್ಕಾರದಿಂದ ಗ್ರಾಮ ಪಂಚಾಯತಿ ಸಿಬ್ಬಂದಿಗಳ ವೇತನಕ್ಕಾಗಿ ವಾರ್ಷಿಕವಾಗಿ 4 ತ್ರೈಮಾಸಿಕ ಕಂತುಗಳಲ್ಲಿ ಅನುದಾನ ಬಿಡುಗಡೆಗೊಳಿಸಲಾಗುತ್ತದೆ. |
| ಆ | ಹಾಗಿದ್ದಲ್ಲಿ ಗ್ರಾಮ ಪಂಚಾಯತಿ ಸಿಬ್ಬಂದಿಗಳಿಗೆ ವೇತನವು ಬಿಡುಗಡೆ ಮಾಡಲು ಸರ್ಕಾರಕ್ಕೆ ಇರುವ ತೊಂದರೆಗಳೇನು; | ಗ್ರಾಮ ಪಂಚಾಯತಿ ಸಿಬ್ಬಂದಿಗಳಿಗೆ ವೇತನವು ಬಿಡುಗಡೆ ಮಾಡಲು ಸರ್ಕಾರಕ್ಕೆ ಯಾವುದೇ ತೊಂದರೆಗಳಿರುವುದಿಲ್ಲ.<br><br>2019-20ನೇ ಸಾಲಿಗೆ ಗ್ರಾಮ ಪಂಚಾಯತಿ ಸಿಬ್ಬಂದಿಗಳ ವೇತನಕ್ಕಾಗಿ ಮೊದಲನೇ ತ್ರೈಮಾಸಿಕ ಕಂತಿನ ಅನುದಾನವಾಗಿ ರೂ.129.98 ಕೋಟಿಗಳನ್ನು ದಿನಾಂಕ:06-06-2019 ರ ಸರ್ಕಾರದ ಆದೇಶದಲ್ಲಿ ಬಿಡುಗಡೆಗೊಳಿಸಲಾಗಿದೆ. |
| ಇ | ರಾಮನಗರ ಜಿಲ್ಲೆ, ಮಾಗಡಿ ತಾಲ್ಲೂಕು ಮಾದಿಗೊಂಡನಹಳ್ಳಿ ಗ್ರಾಮ ಪಂಚಾಯತಿಯಲ್ಲಿ ಕಳೆದ 9 ತಿಂಗಳಿನಿಂದ ಒಟ್ಟು 14 ಸಿಬ್ಬಂದಿಗಳಿಗೆ ವೇತನ ಪಾವತಿಯಾಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ರಾಮನಗರ ಜಿಲ್ಲೆ, ಮಾಗಡಿ ತಾಲ್ಲೂಕು, ಮಾದಿಗೊಂಡನಹಳ್ಳಿ ಗ್ರಾಮ ಪಂಚಾಯತಿಯ ಒಟ್ಟು 14 ಸಿಬ್ಬಂದಿಗಳಿಗೆ 7 ತಿಂಗಳಿನಿಂದ ವೇತನ ಪಾವತಿಸಲು ಬಾಕಿ ಇದ್ದು, ಸದರಿ ಸಿಬ್ಬಂದಿಗಳಿಗೆ ನವೆಂಬರ್ 2018 ರವರೆಗೆ ವೇತನ ಪಾವತಿಸಲಾಗಿದೆ. |
| ಈ | ಈ ಸಿಬ್ಬಂದಿಗಳು ಜೀವನ ನಡೆಸಲು ತೊಂದರೆಯಾಗಿದ್ದು ಕೂಡಲೇ ವೇತನ ಪಾವತಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ? | ಗ್ರಾಮ ಪಂಚಾಯಿತಿ ನೌಕರರಿಗೆ ಗ್ರಾಮ ಪಂಚಾಯಿತಿಗಳು ಸಮರ್ಪಕವಾಗಿ ವೇತನ ಪಾವತಿಸದಿರುವ ಅಂಶವನ್ನು ಮನಗಂಡು ಸರ್ಕಾರವು ಮಾರ್ಚ್ 2018 ರಿಂದ ಕಾರ್ಮಿಕ ಇಲಾಖೆ ನಿಗಧಿಪಡಿಸಿರುವ ವೇತನವನ್ನು ಪಾವತಿಸಲು ಆದೇಶಿಸಿದೆ. ಸರ್ಕಾರದಿಂದ ಗ್ರಾಮ ಪಂಚಾಯತಿ ಸಿಬ್ಬಂದಿಗಳ ವೇತನಕ್ಕಾಗಿ 2019-20ನೇ ಸಾಲಿನಲ್ಲಿ ಇನ್ನುಳಿದ ರೂ.389.94 ಕೋಟಿಗಳ ಅನುದಾನವನ್ನು 3 ತ್ರೈಮಾಸಿಕ ಕಂತಿನಲ್ಲಿ ಹಂತ ಹಂತವಾಗಿ ಬಿಡುಗಡೆಗೊಳಿಸಲಾಗುತ್ತದೆ. |

ಸಂಖ್ಯೆ: ಗ್ರಾಅಪ 583 ಗ್ರಾಪಂಅ 2019

(ಕೃಷ್ಣ ಬೈರೇಗೌಡ)
ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.